ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 13 ನೇ ಮಾರ್ಚ್, 2020

ಯುವ ಸಬಲೀಕರಣ ಮತ್ತು ಕ್ರೀಡಾ ಇಲಾಖೆ ವತಿಯಿಂದ ಯೋಜನೆಗಳ ಅನುಷ್ಠಾನ ಬಗ್ಗೆ

ಶ್ರೀ ಕೆ. ಎ. ತಿಪ್ಪೇಸ್ವಾಮಿ(ನಾಮ ನಿರ್ದೇಶನ ಹೊಂದಿದವರು):-

896 (1091) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಕೇಂದ್ರ ಮತ್ತು ರಾಜ್ಯ ಸರ್ಕಾರಗಳ ಯೋಜನೆಗಳಡಿ ಯುವ ಸಬಲೀಕರಣ ಮತ್ತು ಕ್ರೀಡಾ ಇಲಾಖೆ ವತಿಯಿಂದ ಕಳೆದ 03 ವರ್ಷಗಳಲ್ಲಿ ಅನುಷ್ಠಾನಗೊಳಿಸಲಾಗುತ್ತಿರುವ ಯೋಜನೆಗಳು ಯಾವುವು ; (ಸಂಪೂರ್ಣ ಮಾಹಿತಿ ನೀಡುವುದು)

(ಆ) ರಾಜ್ಯದಲ್ಲಿ ಯುವ ಸಬಲೀಕರಣ ಮತ್ತು ಕ್ರೀಡಾ ಇಲಾಖೆ ವತಿಯಿಂದ ಅನುದಾನದಲ್ಲಿ ವಿವಿಧ ಯೋಜನೆಗಳಡಿಯಲ್ಲಿ ಕಳೆದ 03 ವರ್ಷಗಳಲ್ಲಿ ಒದಗಿಸಿರುವ ಅನುದಾನವೆಷ್ಟು ; (ವಿಧಾನಸಭಾ ಕ್ಷೇತ್ರವಾರು ಸಂಪೂರ್ಣ ಮಾಹಿತಿ ಒದಗಿಸುವುದು)

(ಇ) ರಾಜ್ಯದಲ್ಲಿ ಯುವ ಸಬಲೀಕರಣ ಮತ್ತು ಕ್ರೀಡಾ ಇಲಾಖೆ ವತಿಯಿಂದ ವಿವಿಧ ಯೋಜನೆಗಳಡಿಯಲ್ಲಿ ಕಳೆದ 03 ವರ್ಷಗಳಲ್ಲಿ ನೀಡಿರುವ ಸಹಾಯಧನವನ್ನು ಯಾವ ಯಾವ ಯೋಜನೆ ಅಡಿಯಲ್ಲಿ, ಎಷ್ಟು ಜನರಿಗೆ ಹಾಗೂ ಎಷ್ಟು ಕ್ರೀಡಾ ಸಂಘ ಸಂಸ್ಥೆಗಳಿಗೆ ಸಹಾಯಧನ ನೀಡಿದೆ ? (ವಿಧಾನಸಭಾ ಕ್ಷೇತ್ರವಾರು ಸಂಪೂರ್ಣ ಮಾಹಿತಿ ನೀಡುವುದು)